ಸದನದಲ್ಲಿ ಉತ್ತರಿಸುವ ಪ್ರಶ್ನೆ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಸೋಮವಾರ, ದಿನಾಂಕ: 22ನೇ ಜುಲೈ, 2019

ಬೀದರ್ ಜಿಲ್ಲೆಯ ಕೆಲವು ರೈತರು ಸಾಲ ಮನ್ನಾದಿಂದ ವಂಚಿತರಾಗಿರುವ ಬಗ್ಗೆ

ಶ್ರೀ ಅರವಿಂದ ಕುಮಾರ್ ಅರಳಿ (ವಿಧಾನಸಭೆಯಿಂದ ಚುನಾಯಿತರಾದವರು) -

78 (455) ಸಹಕಾರ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ಮಹಾರಾಷ್ಟ್ರದ ಗಡಿಯಲ್ಲಿ ಬೀದರ್ ಜಿಲ್ಲೆಯ ಔರಾದ್ ತಾಲ್ಲೂಕಿನ ಕೆಲವು ಗ್ರಾಮಗಳ ರೈತರು ರಾಜ್ಯ ಸರ್ಕಾರದ ಸಾಲ ಮನ್ನಾ ಸೌಲಭ್ಯದಿಂದ ವಂಚಿತರಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಕರ್ನಾಟಕ ರಾಜ್ಯದಲ್ಲಿ ಜಮೀನು ಹೊಂದಿದ್ದು, ಮಹಾರಾಷ್ಟ್ರದ ಪಡಿತರ ಚೀಟಿ ಹೊಂದಿದ್ದರಿಂದ ಈ ಸಮಸ್ಯೆ ಉಂಟಾಗಿರುವುದೆಂಬ ದೂರು ನಿಜವೇ;

(ಇ) ಹಾಗಿದ್ದಲ್ಲಿ, ಈ ಗಡಿಭಾಗದ ರೈತರ ಹಿತರಕ್ಷಣೆಗೆ ಸರ್ಕಾರ ಕೈಗೊಂಡ ಕ್ರಮಗಳೇನು; ಕೈಗೊಳ್ಳದಿದ್ದಕ್ಕೆ ಕಾರಣಗಳೇನು ?